

# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 09-03-2021 ಪ್ರಶ್ನೆ ಸಂಖ್ಯೆ : 121(841)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಪಿ. ಆರ್. ರಮೇಶ್(ನಾಮನಿರ್ದೇಶನ ಹೊಂದಿದವರು)

ಉತ್ತರ ನೀಡಬೇಕಾದ ದಿನಾಂಕ : 09-03-2021

ಉತ್ತರಿಸುವ ಸಚಿವರು: ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು

ವಿಷಯ : ರಾಜ್ಯದಲ್ಲಿರುವ ಬಿಪಿಎಲ್ ಪಡಿತರ ಚೀಟಿದಾರರ ಕುರಿತು

(ಅ) ರಾಜ್ಯದಲ್ಲಿ ಆಹಾರ ಮತ್ತು ನಾಗರಿಕ ಸರಬರಾಜು ಇಲಾಖೆವತಿಯಿಂದ ವಿತರಿಸಲಾಗಿರುವ ಬಿಪಿಎಲ್ ಪಡಿತರ ಚೀಟಿಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು/ತಾಲ್ಲೂಕುವಾರು/ಗ್ರಾಮವಾರು ವಿವರ ನೀಡುವುದು)

(ಆ) ಬಿಪಿಎಲ್ ಪಡಿತರ ಚೀಟಿಗಳನ್ನು ಹೊಂದಿರುವ ಕುಟುಂಬಗಳಿಗೆ ಸರ್ಕಾರದಿಂದ ನೀಡುವ ಪಡಿತರ ಮತ್ತು ಅದರ ದರಗಳ ವಿವರಗಳನ್ನು ನೀಡುವುದು ಈ ಪಡಿತರದ ದರಗಳನ್ನು ಹೆಚ್ಚಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; (ವಿವರ ನೀಡುವುದು)

(ಇ) ಬಿಪಿಎಲ್ ಪಡಿತರ ಚೀಟಿ ಹೊಂದಲು ನಿಗಧಿಪಡಿಸಿರುವ ಮಾನದಂಡಗಳೇನು; (ವಿವರ ನೀಡುವುದು)

(ಈ) ಆರ್ಥಿಕವಾಗಿ ಸದೃಡವಾಗಿರುವ ಕುಟುಂಬಗಳು ಸುಳ್ಳು ಮಾಹಿತಿ ನೀಡಿ ಬಿಪಿಎಲ್ ಪಡಿತರ ಚೀಟಿಗಳನ್ನು ಪಡೆದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರದ ಕ್ರಮವೇನು; (ವಿವರ ನೀಡುವುದು)

(ಉ) ಸುಳ್ಳು ಮಾಹಿತಿ ನೀಡಿ ಪಡಿತರ ಚೀಟಿ ಪಡೆದಿರುವ ಕುಟುಂಬಗಳನ್ನು ಪತ್ತೆ ಹಚ್ಚಲು ಸರ್ಕಾರದ ಕ್ರಮವೇನು? (ವಿವರ ನೀಡುವುದು)